ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೆರಡನೆಯ ಅಧಿವೇಶನ

ಶುಕ್ರವಾರ, ದಿನಾಂಕ: 11ನೇ ಡಿಸೆಂಬರ್, 2020

ನಿರ್ಭಯ ಯೋಜನೆಯಡಿ ಮಹಿಳೆಯರ ಸುರಕ್ಷತೆ ಮತ್ತು ಭದ್ರತೆ

ಶ್ರೀ ಕೆ.ಎ. ತಿಪ್ಪೇಸ್ವಾಮಿ (ನಾಮನಿರ್ದೇಶನ ಹೊಂದಿದವರು):-

475(553) ಮಾನ್ಯ ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ ಹಾಗೂ ವಿಕಲಚೇತನರ ಮತ್ತು ಹಿರಿಯ ನಾಗರಿಕರ ಸಬಲೀಕರಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ :-

(ಅ) ಕಳೆದ 5 ವರ್ಷಗಳಿಂದ ನಿರ್ಭಯ ಯೋಜನೆಯಡಿ ರಾಜ್ಯದಲ್ಲಿ ಮಹಿಳೆಯರಿಗೆ ಸುರಕ್ಷತೆ ಮತ್ತು ಭದ್ರತೆ ಒದಗಿಸಲು ಕೇಂದ್ರ ಸರ್ಕಾರದಿಂದ ವಿವಿಧ ಇಲಾಖೆಗಳಿಗೆ ಒದಗಿಸಿರುವ ಅನುದಾನವೆಷ್ಟು;

(ಆ) ಈ ಅನುದಾನವನ್ನು ರಾಜ್ಯದ ವಿವಿಧ ಇಲಾಖಾ ಅಡಿಯಲ್ಲಿ ಮಹಿಳಾ ಸುರಕ್ಷತೆ ಮತ್ತು ಭದ್ರತೆ ಕಾರ್ಯಕ್ರಮಗಳಿಗೆ ಬಳಸಿಕೊಳ್ಳಲಾಗಿದೆಯೇ; (ಇಲಾಖಾವಾರು ಮತ್ತು ಕಾರ್ಯಕ್ರಮವಾರು ಸಂಪೂರ್ಣ ವಿವರ ಒದಗಿಸುವುದು)

(ಇ) ಈ ಅನುದಾನವನ್ನು ಸದ್ಬಳಕೆ ಮಾಡದೇ ಕೇಂದ್ರ ಸರ್ಕಾರಕ್ಕೆ ಹಿಂತಿರುಗಿಸಿರುವ ಪ್ರಕರಣಗಳು ಯಾವುವು ಮತ್ತು ಅಂತಹ ನಿರ್ಲಕ್ಷ್ಯತೆ ತೋರಿರುವ ಇಲಾಖಾ ಮುಖ್ಯಸ್ಥರ ಮತ್ತು ಅಧಿಕಾರಿಗಳ ವಿರುದ್ಧ ಸರ್ಕಾರ ಕೈಗೊಂಡಿರುವ ಕ್ರಮಗಳೇನು? (ಸಂಪೂರ್ಣ ವಿವರ ನೀಡುವುದು)